## ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 1770 |
| ಸದಸ್ಯರ ಹೆಸರು | ಶ್ರೀ ಬಸವರಾಜ ಶಿವಲಿಂಗಪ್ಪ ಹೊರಟ್ಟಿ (ಶಿಕ್ಷಕರ ಕ್ಷೇತ್ರ) |
| ಉತ್ತರಿಸಬೇಕಾದ ದಿನಾಂಕ | 23-03-2020 |
| ಉತ್ತರಿಸಬೇಕಾದ ಸಚಿವರು | ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಚಿವರು ಹಾಗೂ ಸಕಾಲ ಸಚಿವರು |

| ಕ್ರಮ ಸಂಖ್ಯೆ | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದ ಅನುದಾನ ರಹಿತ ಶಿಕ್ಷಣ ಸಂಸ್ಥೆಗಳ ನೌಕರರಿಗೆ ಸೇವಾಭದ್ರತೆ ನೀಡುವ ಬಗ್ಗೆ ಕಾನೂನು ಹಾಗೂ ನಿಯಮಾವಳಿಗಳನ್ನು 2005 ರಿಂದ ಅನುಷ್ಠಾನಗೊಳ್ಳುತ್ತಿರುವುದು ನಿಜವೇ; | ಕರ್ನಾಟಕ ಶಿಕ್ಷಣ ಸಂಸ್ಥೆಗಳು [ಖಾಸಗಿ ಅನುದಾನರಹಿತ ಪ್ರಾಥಮಿಕ, ಪ್ರೌಢ ಮತ್ತು ಪದವಿ ಪೂರ್ವ ಶಿಕ್ಷಣ ಸಂಸ್ಥೆಗಳ ಸಿಬ್ಬಂದಿಗಳ ಸೇವಾ ಷರತ್ತು ಮತ್ತು ನಿಯಮಗಳು] 2005ರ ನಿಯಮಗಳಂತೆ ಖಾಸಗಿ ಅನುದಾನರಹಿತ ಶಾಲೆಗಳಲ್ಲಿನ ಸಿಬ್ಬಂದಿಗಳಿಗೆ ಶಾಲೆಯ ಆಡಳಿತ ಮಂಡಳಿಗಳು ಸರ್ಕಾರದ ಆದೇಶ ಸಂಖ್ಯೆ ಇಡಿ 01 ಎಸ್ ಇ ಡಿ 2005 ರಂತೆ ದಿನಾಂಕ :12.01.2006ರನ್ವಯ ಸೇವಾ ಭದ್ರತೆ/ಸೌಲಭ್ಯಗಳನ್ನು ಕಡ್ಡಾಯವಾಗಿಒದಗಿಸಬೇಕಾಗಿದೆ. |
| ಆ) | ಸರ್ಕಾರ ರೂಪಿಸಿದ ಕಾನೂನು ಹಾಗೂ ನಿಯಮಗಳನ್ನು ಖಾಸಗಿ ಅನುದಾನಿತ ಶಿಕ್ಷಣ ಸಂಸ್ಥೆಗಳು ಕಟ್ಟು ನಿಟ್ಟಾಗಿ ಜಾರಿಗೊಳಿಸದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಬಂದಿದೆ. |
| ಇ) | ಬಂದಿದ್ದಲ್ಲಿ, ಅನುದಾನರಹಿತ ಆಡಳಿತ ಮಂಡಳಿಗಳ ವಿರುದ್ಧ ಕಾನೂನಿನನ್ವಯ ಏಕೈಗೊಂಡ ಕ್ರಮಗಳೇನು; | ರಾಜ್ಯ ಎಲ್ಲಾ ಉಪ ನಿರ್ದೇಶಕರು ಮತ್ತು ಕ್ಷೇತ್ರ ಶಿಕ್ಷಣಾಧಿಕಾರಿಗಳಿಗೆ ಸೇವಾ ಭದ್ರತೆಯನ್ನು ಒದಗಿಸದ ಶಾಲೆಗಳ ಆಡಳಿತ ಮಂಡಳಿಗಳ ವಿರುದ್ಧ ಕರ್ನಾಟಕ ಶಿಕ್ಷಣ ಕಾಯಿದೆ ಸೆಕ್ಷನ್-125[ಎ]ರಂತೆ ಜಿಲ್ಲಾ ಶಿಕ್ಷಣ ನಿಯಂತ್ರಣ ಪ್ರಾಧಿಕಾರ [ಡೇರಾ]ದಲ್ಲಿ ಪ್ರಕರಣ ದಾಖಲಿಸಿ ನಿಯಮಾನುಸಾರ ಕ್ರಮ ಕೈಗೊಳ್ಳುವಂತೆ ಸೂಚಿಸಲಾಗಿದೆ. |
| ಈ) | 6ನೇ ವೇತನ ಆಯೋಗದ ಶಿಫಾರಸ್ಸುಗಳನ್ವಯ ಅನುದಾನರಹಿತ ಶಿಕ್ಷಣ ಸಂಸ್ಥೆಗಳು ತನ್ನ ಸಿಬ್ಬಂದಿಗೆ ಮೂಲವೇತನದ ಸರಿಸಮ ವೇತನ ನೀಡದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಬಂದಿದೆ |
| ಉ) | ಬಂದಿದ್ದಲ್ಲಿ, 6ನೇ ವೇತನ ಆಯೋಗ ಶಿಫಾರಸ್ಸುಗಳನ್ವಯ ಮೂಲವೇತನ ಪಾವತಿಸುವ ಬಗ್ಗೆ ಅನುದಾನರಹಿತ ಶಿಕ್ಷಣ ಸಂಸ್ಥೆಗಳಿಗೆ ಸೂಕ್ತ ನಿರ್ದೇಶನಗಳನ್ನು ಸರ್ಕಾರ ಹೊರಡಿಸಿದೆಯೇ; | 6ನೇ ವೇತನ ಆಯೋಗ ಶಿಫಾರಸ್ಸುಗಳನ್ವಯ ಕನಿಷ್ಠ ಮೂಲ ವೇತನ ಹಾಗೂ ಇತರೆ ಭತ್ಯೆಗಳನ್ನು ಸುತ್ತೋಲೆಯ ಮೂಲಕ ಪಾವತಿಸುವಂತೆ ಸೂಚಿಸಲಾಗಿದೆ. |
| ಊ) | ಸರ್ಕಾರವು 6ನೇ ವೇತನ ಆಯೋಗದ ಶಿಫಾರಸ್ಸಿನಂತೆ ಮೂಲ ವೇತನ ನೀಡದಿರುವ ಅನುದಾನರಹಿತ ಶಿಕ್ಷಣ ಸಂಸ್ಥೆಗಳ ವಿರುದ್ಧ ಕೈಗೊಂಡಿರುವ ಕ್ರಮಗಳೇನು? | 6ನೇ ವೇತನ ಆಯೋಗದ ಶಿಫಾರಸ್ಸಿನಂತೆ ಮೂಲ ವೇತನ ನೀಡದಿರುವ ಅನುದಾನರಹಿತ ಶಿಕ್ಷಣ ಸಂಸ್ಥೆಗಳ ವಿರುದ್ಧ ದೂರು ಬಂದಿದ್ದಲ್ಲಿ [ಡೇರಾ]ದಲ್ಲಿ ಪ್ರಕರಣ ದಾಖಲಿಸಿ ಕ್ರಮ ತೆಗೆದುಕೊಳ್ಳಲಾಗುತ್ತಿದೆ. |

**ಇಡಿ 63 ಪಿಎಂಸಿ 2020**

S. S—

[ಎಸ್.ಸುರೇಶ್‌ಕುಮಾರ್]
ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ
ಸಕಾಲ ಸಚಿವರು.